ಲಿಖಿತ ಮೂಲಕ ಉತ್ತರಿಸುವ

# ಕರ್ನಾಟಕ ವಿಧಾನ ಪರಿಷತ್ತು

## ನೂರ ಮೂವತ್ತೆಂಟನೆಯ ಅಧಿವೇಶನ

## ಗುರುವಾರ, ದಿನಾಂಕ: 18ನೇ ಜುಲೈ, 2019

ರಾಜ್ಯದಲ್ಲಿ ಹಬ್ಬ ಹರಿದಿನ ಬಂದಾಗ ಸಾರಿಗೆ ಸಂಸ್ಥೆಯವರು ಸಾಮಾನ್ಯ ದರಕ್ಕಿಂತ ಹೆಚ್ಚಿನ ದರವನ್ನು ವಿಧಿಸುವ ಬಗ್ಗೆ

ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

300 (201) ಮಾನ್ಯ ಸಾರಿಗೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ರಾಜ್ಯದಲ್ಲಿ ಎರಡನೇ ಶನಿವಾರ ಹಾಗೂ ರವಿವಾರ, ಸರ್ಕಾರಿ ರಜಾ ಸಮಯದಲ್ಲಿ ಸರ್ಕಾರಿ ನೌಕರರು ಮತ್ತು ಸಾರ್ವಜನಿಕರು ತಮ್ಮ ತಮ್ಮ ಊರುಗಳಿಗೆ ಪ್ರಯಾಣ ಮಾಡುತ್ತಿದ್ದು, ಈ ಸಂದರ್ಭದಲ್ಲಿ ಖಾಸಗಿ ಸಾರಿಗೆ ಸಂಸ್ಥೆಯವರು ಸಾಮಾನ್ಯ ದರಕ್ಕಿಂತಲೂ ದುಪ್ಪಟ್ಟು ಚಾರ್ಜ್ ಮಾಡುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಖಾಸಗಿಯವರಲ್ಲದೇ ಸರ್ಕಾರಿ ಸ್ವಾಮ್ಯದ ಕೆ.ಎಸ್.ಆರ್.ಟಿ.ಸಿ.ಯಲ್ಲಿಯೂ ಕೂಡ ಟಿಕೆಟ್‌ನ ಬೆಲೆ ಏರಿಸುತ್ತಿರುವುದು ಸಾರ್ವಜನಿಕರಲ್ಲಿ ಆತಂಕ ಉಂಟು ಮಾಡಿರುವುದರ ಬಗ್ಗೆ ಸರ್ಕಾರದ ನಿಲುವೇನು ;

(ಇ) ಈ ರೀತಿ ಹಬ್ಬ-ಹರಿದಿನಗಳಲ್ಲಿ ಪ್ರಯಾಣಿಕರಿಗೆ ಆಗುತ್ತಿರುವ ಸುಲಿಗೆ ನಿಲ್ಲಿಸಲು ಸರ್ಕಾರ ಮುಂಬರುವ ದಿನಗಳಲ್ಲಿ ಏನು ಕ್ರಮ ಕೈಗೊಳ್ಳಲಿದೆ ? (ವಿವರ ನೀಡುವುದು)